ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಗುರುವಾರ, ದಿನಾಂಕ : 12 ನೇ ಮಾರ್ಚ್, 2020

ಔರಾದ್ಕರ್ ವರದಿಯನ್ನು ಜಾರಿಗೊಳಿಸುವ ಕುರಿತು

ಶ್ರೀ ಎಂ.ಕೆ. ಪ್ರಾಣೇಶ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) ಹಾಗೂ ಶ್ರೀ ಮರಿತಿಬ್ಬೇಗೌಡ (ಶಿಕ್ಷಕರ ಕ್ಷೇತ್ರ) :-

760 (882+894) ಮಾನ್ಯ ಗೃಹ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) "ಔರಾದ್ಕರ್ ವರದಿ" ಯನ್ನು ಜಾರಿಗೆ ತರುವ ವಿಚಾರ ಸರ್ಕಾರದ ಮುಂದೆ ಇದೆಯೇ; ಈ ವರದಿಯನ್ನು ಯಾವಾಗ ಸಲ್ಲಿಸಲಾಯಿತು; ಈ ವರದಿಯನ್ನು ಸರ್ಕಾರ ಒಪ್ಪಿಕೊಂಡಿದೆಯೇ;

(ಆ) ಇದ್ದಲ್ಲಿ, ಯಾವ ಕಾಲಮಿತಿಯಲ್ಲಿ ಔರಾದ್ಕರ್ ವರದಿಯನ್ನು ಜಾರಿಗೆ ತರಲಾಗುವುದು (ಸ್ಪಷ್ಟ ಮಾಹಿತಿ ನೀಡುವುದು); ಈ ವರದಿಯ ಶಿಫಾರಸ್ಸಿನ ಪ್ರಮುಖ ಅಂಶಗಳೇನು ; (ವಿವರಗಳನ್ನು ನೀಡುವುದು)

(ಇ) ಕೆಳಹಂತದ ಪೊಲೀಸ್ ಸಿಬ್ಬಂದಿಯ ವೇತನ ಹೆಚ್ಚಳದ ಕುರಿತು ಸರ್ಕಾರ ಕೈಗೊಂಡ ಕ್ರಮಗಳೇನು ; (ಸಂಪೂರ್ಣ ಮಾಹಿತಿ ನೀಡುವುದು)

(ಈ) ಕೇಂದ್ರದ ಮಾದರಿಯಲ್ಲಿ ಪೊಲೀಸ್ ಸಿಬ್ಬಂದಿಯ ಸೇವಾಧಿಯನ್ನು 08 ಗಂಟೆಗೆ ಅನುವು ಮಾಡಿಕೊಡುವ ಬಗ್ಗೆ ಸರ್ಕಾರ ಕೈಗೊಂಡ ಕ್ರಮಗಳೇನು; (ಸಂಪೂರ್ಣ ಮಾಹಿತಿ ನೀಡುವುದು)

(ಉ) ಪೊಲೀಸ್ ಕೆಳಹಂತದ ಸಿಬ್ಬಂದಿ ನೇಮಕಾತಿಯನ್ನು ಏಕಮುಖ ನೇಮಕಾತಿ ಮಾಡುವ ಕುರಿತು ಸರ್ಕಾರ ಕೈಗೊಂಡ ಕ್ರಮಗಳೇನು; (ಸಂಪೂರ್ಣ ಮಾಹಿತಿ ನೀಡುವುದು)

(ಊ) ಸದರಿ ವರದಿಯ ಸಂಬಂಧ ಸರ್ಕಾರ ಜಾರಿಗೊಳಿಸಿರುವ ಸೌಲಭ್ಯಗಳೇನು; (ವಿವರಗಳನ್ನು ನೀಡುವುದು) ಹಾಗೂ ಯಾವ ಕಾಲಮಿತಿಯಲ್ಲಿ ಜಾರಿಗೊಳಿಸಲಾಗುವುದು ?